# ಕರ್ನಾಟಕ ವಿಧಾನಸಭೆ

ಹದಿನಾಲ್ಕನೇ ವಿಧಾನಸಭೆ
(ಹದಿನಾಲ್ಕನೇ ಅಧಿವೇಶನ)

## ಕಾರ್ಯಕಲಾಪಗಳ ಪಟ್ಟಿ

ಸೋಮವಾರ, ದಿನಾಂಕ 05ನೇ ಜೂನ್, 2017
(ಸಮಯ: ಬೆಳಿಗ್ಗೆ 11.30 ಗಂಟೆಗೆ)

-----

### 1. ಸಂತಾಪ ಸೂಚನೆ

### 2. ಪ್ರಶ್ನೋತ್ತರ

ಅ) ಸದನದಲ್ಲಿ ಉತ್ತರಿಸುವ ಪ್ರಶ್ನೆಗಳು : ಮೊದಲನೇ ಪಟ್ಟಿ

ಆ) ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆಗಳು : ಮೊದಲನೇ ಪಟ್ಟಿ

### 3. ಕಾರ್ಯದರ್ಶಿಯವರ ವರದಿ

**ಕಾರ್ಯದರ್ಶಿಯವರು:-**

ಕಳೆದ ಅಧಿವೇಶನದಲ್ಲಿ ವರದಿಯನ್ನು ಒಪ್ಪಿಸಿದ ನಂತರ ರಾಷ್ಟ್ರಪತಿ/ರಾಜ್ಯಪಾಲರಿಂದ ಒಪ್ಪಿಗೆ ಪಡೆದ ವಿಧೇಯಕಗಳ ಪಟ್ಟಿಯನ್ನು ಸಭೆಯ ಮುಂದೆ ಮಂಡಿಸುವುದು.

### 4. ಗಮನ ಸೆಳೆಯುವ ಸೂಚನೆಗಳು

1. **ಶ್ರೀ ಎಸ್.ಎನ್. ಸುಬ್ಬಾರೆಡ್ಡಿ** ಇವರು – ಆರ್.ಟಿ.ಇ. ಅಡಿಯಲ್ಲಿ ಆನ್‌ಲೈನ್ ಅರ್ಜಿ ಸಲ್ಲಿಕೆ ಬಗ್ಗೆ ಮಾಹಿತಿ ಇಲ್ಲದೇ ಗ್ರಾಮೀಣ ಭಾಗದ ಜನರಿಗೆ ಅನ್ಯಾಯವಾಗುತ್ತಿರುವ ಬಗ್ಗೆ ಮಾನ್ಯ ಪ್ರಾಥಮಿಕ ಮತ್ತು ಪ್ರೌಢಶಿಕ್ಷಣ ಹಾಗೂ ಅಲ್ಪ ಸಂಖ್ಯಾತರ ಕಲ್ಯಾಣ ಮತ್ತು ವಕ್ಫ್ ಸಚಿವರ ಗಮನ ಸೆಳೆಯುವುದು.

2. **ಶ್ರೀ ಹೆಚ್. ಸಿ. ಬಾಲಕೃಷ್ಣ** ಇವರು – ಕಲುಷಿತಗೊಂಡಿರುವ ತಿಪ್ಪಗೊಂಡನಹಳ್ಳಿ ಜಲಾಶಯದ ನೀರನ್ನು ಶುದ್ಧೀಕರಿಸಿ ಬೆಂಗಳೂರಿಗೆ ಕುಡಿಯುವ ನೀರನ್ನು ಸರಬರಾಜು ಮಾಡುವ ಬಗ್ಗೆ ಮಾನ್ಯ ಬೆಂಗಳೂರು ಅಭಿವೃದ್ಧಿ ಮತ್ತು ನಗರ ಯೋಜನಾ ಸಚಿವರ ಗಮನ ಸೆಳೆಯುವುದು.

3. **ಶ್ರೀ ಜೆ.ಆರ್. ಲೋಬೋ** ಇವರು – ರಾಜ್ಯದ ಕರಾವಳಿ ಮತ್ತು ಮಲೆನಾಡು ಜಿಲ್ಲೆಗಳಲ್ಲಿ ಗ್ರಾಮೀಣಾಭಿವೃದ್ಧಿ ಇಲಾಖೆಯು ತಂದಿರುವ ನಮೂನೆ-9 ಮತ್ತು 11 ರಿಂದ ಆಗುತ್ತಿರುವ ತೊಂದರೆಯನ್ನು ನೀಗಿಸುವ ಬಗ್ಗೆ ಮಾನ್ಯ ಗ್ರಾಮೀಣಾಭಿವೃದ್ಧಿ ಮತ್ತು ಪಂಚಾಯತ್ ರಾಜ್ ಸಚಿವರ ಗಮನ ಸೆಳೆಯುವುದು.

**ಎಸ್. ಮೂರ್ತಿ**
ಕಾರ್ಯದರ್ಶಿ(I/c)

---

**ವಿಧಾನಸಭೆಯ ಕಾರ್ಯಕಲಾಪಗಳ ಪಟ್ಟಿಯನ್ನು ವೆಬ್‌ಸೈಟ್‌ನಲ್ಲಿಯೂ ಸಹ ಪಡೆದುಕೊಳ್ಳಬಹುದು.**
http://kla.kar.nic.in/assembly/lob/lob.htm